ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 20 ನೇ ಮಾರ್ಚ್, 2020

ಶ್ರೀ ಮಲೈಮಹದೇಶ್ವರ ಬೆಟ್ಟದಲ್ಲಿನ ಅಭಿವೃದ್ಧಿ ಕಾಮಗಾರಿಗಳ ಬಗ್ಗೆ

ಶ್ರೀ ಮರಿತಿಬ್ಬೇಗೌಡ(ಶಿಕ್ಷಕರ ಕ್ಷೇತ್ರ) :-

1357(1628) ಮಾನ್ಯ ಪ್ರವಾಸೋದ್ಯಮ, ಕನ್ನಡ ಮತ್ತು ಸಂಸ್ಕೃತಿ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಪ್ರವಾಸೋದ್ಯಮ ಇಲಾಖೆ ವತಿಯಿಂದ ಚಾಮರಾಜನಗರ ಜಿಲ್ಲೆಯ ಶ್ರೀ ಮಲೈಮಹದೇಶ್ವರ ಬೆಟ್ಟದಲ್ಲಿ ಕಳೆದ ಮೂರು ವರ್ಷಗಳಲ್ಲಿ ಕೈಗೊಂಡಿರುವ ಅಭಿವೃದ್ಧಿ ಕಾಮಗಾರಿಗಳಾವುವು ; (ವಿವರ ನೀಡುವುದು)

(ಆ) ಸದರಿ ಯೋಜನೆಯ ಅಂದಾಜು ಮೊತ್ತವೆಷ್ಟು ; (ವಿವರ ನೀಡುವುದು)

(ಇ) ಈ ಕಾಮಗಾರಿಗಳು ಯಾವ ಹಂತದಲ್ಲಿವೆ ;

(ಈ) ಕಾಮಗಾರಿಗಳನ್ನು ಯಾವ ಕಾಲಮಿತಿಯಲ್ಲಿ ಪೂರ್ಣಗೊಳಿಸಲಾಗುವುದು ?